# ಕರ್ನಾಟಕ ವಿಧಾನ ಪರಿಷತ್ತು

ಚುಕ್ಕೆ ಗುರುತಿಲ್ಲದ ಪ್ರಶ್ನೆ ಸಂಖ್ಯೆ : (27)109
ಸದಸ್ಯರ ಹೆಸರು : ಶ್ರೀ ಅ. ದೇವೇಗೌಡ (ಪದವೀಧರ ಕ್ಷೇತ್ರದಿಂದ ಚುನಾಯಿತರಾದವರು)
ಉತ್ತರಿಸುವ ದಿನಾಂಕ : 13-12-2021
ಉತ್ತರಿಸುವ ಸಚಿವರು : ಮಾನ್ಯ ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಹಾಗೂ ಸಕಾಲ ಸಚಿವರು

| ಕ್ರಮ ಸಂಖ್ಯೆ. | ಪ್ರಶ್ನೆ | ಉತ್ತರ |
|---|---|---|
| ಅ) | ರಾಜ್ಯದಲ್ಲಿನ ಎಲ್ಲಾ ಅನುದಾನಿತ ಖಾಸಗಿ ಪದವಿ ಪೂರ್ವ ಕಾಲೇಜುಗಳಲ್ಲಿನ ದೈಹಿಕ ಶಿಕ್ಷಣ ಉಪನ್ಯಾಸಕರ ಹುದ್ದೆಗಳನ್ನು ವಿದ್ಯಾರ್ಥಿಗಳ ಸಂಖ್ಯಾ ಬಲದ ಆಧಾರದ ಮೇಲೆ ವೇತನಾನುದಾನಕ್ಕೆ ಒಳಪಡಿಸಲು ಸರ್ಕಾರ ಆದೇಶ ಹೊರಡಿಸಿದೆಯೇ; | ಹೌದು<br><br>ಸರ್ಕಾರದ ಅಧಿಸೂಚನೆ ಸಂಖ್ಯೆ:ಇಡಿ 43 ಟಿಪಿಯು 2018 ದಿನಾಂಕ:09-10-2019ರಲ್ಲಿ the Karnataka Pre-University Education (Academic, Registration, Administration and Grant-in-aid etc.,) (Amendment) Rules, 2019ನ್ನು ಜಾರಿಗೆ ತರಲಾಗಿದೆ. ಸದರಿ ತಿದ್ದುಪಡಿ ನಿಯಮಗಳನ್ವಯ ಅನುದಾನಿತ ಪದವಿ ಪೂರ್ವ ಕಾಲೇಜುಗಳಲ್ಲಿ ದೈಹಿಕ ಶಿಕ್ಷಕರ ಹುದ್ದೆಗಳನ್ನು ಅನುದಾನಕ್ಕೆ ಒಳಪಡಿಸಲು ಪ್ರಥಮ ಮತ್ತು ದ್ವಿತೀಯ ಪಿಯುಸಿ ತರಗತಿ ಸೇರಿ ಕನಿಷ್ಠ 120 ವಿದ್ಯಾರ್ಥಿಗಳ ಸಂಖ್ಯಾಬಲವನ್ನು ನಿಗದಿಪಡಿಸಿ ಆದೇಶಿಸಿದೆ. |
| ಆ) | 2020-21ನೇ ಸಾಲಿನ ಆರ್ಥಿಕ ವರ್ಷದಲ್ಲಿ ಎಲ್ಲಾ ನೇರ ನೇಮಕಾತಿ ಹುದ್ದೆಗಳನ್ನು ಭರ್ತಿ ಮಾಡುವುದನ್ನು ತಡೆಹಿಡಿದಿದ್ದರೂ, 2020-21ನೇ ಶೈಕ್ಷಣಿಕ ವರ್ಷದಲ್ಲಿ ದೈಹಿಕ ಶಿಕ್ಷಣ ಉಪನ್ಯಾಸಕರ ಹುದ್ದೆಗಳನ್ನು ಶೈಕ್ಷಣಿಕ ಹಿತದೃಷ್ಟಿಯಿಂದ ಹಾಗೂ ಬೋಧಕರ ವಯೋಮಾನ ಮೀರುವುದನ್ನು ಪರಿಗಣಿಸಿ, ವೇತನಾನುದಾನಕ್ಕೆ ಒಳಪಡಿಸಲು ಸರ್ಕಾರವು ಆರ್ಥಿಕ ಮಿತಿಯನ್ನು ಸಡಿಲಿಸಿ ಈ ಶಿಕ್ಷಕರಿಗೆ ಅನುಕೂಲ ಮಾಡಿಕೊಡಲಿದೆಯೇ? | ಸರ್ಕಾರದ ಸುತ್ತೋಲೆ ಸಂಖ್ಯೆ: ಆಇ 157 ವೆಚ್ಚ-8/2020 ದಿನಾಂಕ:10-06-2020 ರಲ್ಲಿ ಪ್ರಸ್ತುತ ಕೋವಿಡ್-19ರ ಹಿನ್ನೆಲೆಯಲ್ಲಿ ಖಾಸಗಿ ಅನುದಾನಿತ ಪದವಿ ಪೂರ್ವ ಕಾಲೇಜುಗಳಲ್ಲಿ ನಿವೃತ್ತಿ, ನಿಧನ, ರಾಜೀನಾಮೆ ಮತ್ತು ಇತರೆ ಯಾವುದೇ ಕಾರಣಗಳಿಂದ ಖಾಲಿ ಉಂಟಾಗುವ ಹುದ್ದೆಗಳನ್ನು 2020-21ನೇ ಸಾಲಿನಲ್ಲಿ ಯಾವುದೇ ಹೊಸ ಅನುದಾನ ರಹಿತ ವಿದ್ಯಾ ಸಂಸ್ಥೆಗಳನ್ನು ಅನುದಾನಕ್ಕೆ ಒಳಪಡಿಸುವಂತಿಲ್ಲವೆಂದು ರಾಜ್ಯದಲ್ಲಿ ಆರ್ಥಿಕ ಮಿತವ್ಯಯವನ್ನು ಜಾರಿಗೊಳಿಸಿದೆ.<br><br>ಈ ಹಿನ್ನೆಲೆಯಲ್ಲಿ ಪ್ರಸ್ತುತ ಆರ್ಥಿಕ ವರ್ಷದಲ್ಲಿ ಹುದ್ದೆಗಳನ್ನು ಭರ್ತಿ ಮಾಡುವಂತಿಲ್ಲವೆಂದು ಹಾಗೂ ಸದರಿ ನಿಯಮವು ಈಗಾಗಲೇ ಭರ್ತಿ ಮಾಡಲು ಆರ್ಥಿಕ ಇಲಾಖೆಯು ಸಹಮತಿಸಿರುವ ಪ್ರಕರಣಗಳಿಗೂ ಸಹ ಆರ್ಥಿಕ ಮಿತವ್ಯಯ ಅನ್ವಯಿಸತಕ್ಕದ್ದೆಂದು ಆದೇಶಿಸಿರುವ ನಿಮಿತ್ತ ತಾತ್ಕಾಲಿಕಾವಾಗಿ ಈ ಪ್ರಕ್ರಿಯೆಯನ್ನು ಸ್ಥಗಿತಗೊಳಿಸಲಾಗಿದೆ.<br><br>ಆರ್ಥಿಕ ಇಲಾಖೆಯು ಆರ್ಥಿಕ ಮಿತವ್ಯಯವನ್ನು ಸಡಿಲಿಸಿದ ನಂತರ ಪ್ರಸ್ತಾವನೆಯನ್ನು ಪರಿಶೀಲಿಸಲು ಕ್ರಮವಹಿಸಲಾಗುವುದು. |

**ಸಂಖ್ಯೆ: ಇಡಿ 194 ಡಿಜಿಡಬ್ಲ್ಯೂ 2021**

(ಬಿ.ಸಿ. ನಾಗೇಶ್)
ಪ್ರಾಥಮಿಕ ಮತ್ತು ಪ್ರೌಢ ಶಿಕ್ಷಣ ಸಚಿವರು ಹಾಗೂ ಸಕಾಲ ಸಚಿವರು